ಸದನದಲ್ಲಿ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 24ನೇ ಜುಲೈ, 2019

ಪೋಡಿ ಅರ್ಜಿಗಳ ವಿಲೇವಾರಿ ಬಗ್ಗೆ

ಶ್ರೀ ಎನ್. ಅಪ್ಪಾಜಿ ಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

120 (698) ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ರಾಜ್ಯದಲ್ಲಿ ಪೋಡಿಗಾಗಿ ಬಾಕಿ ಇರುವ ಅರ್ಜಿಗಳೆಷ್ಟು ; (ಜಿಲ್ಲಾವಾರು ವಿವರ ನೀಡುವುದು)

(ಆ) ಕಳೆದ 3 ವರ್ಷಗಳಿಂದ ರಾಜ್ಯಾದ್ಯಂತ ಪೋಡಿಗಾಗಿ ಸಲ್ಲಿಕೆಯಾಗಿರುವ ಅರ್ಜಿಗಳೆಷ್ಟು ; ಆ ಪೈಕಿ ಎಷ್ಟು ಅರ್ಜಿಗಳನ್ನು ವಿಲೇವಾರಿ ಮಾಡಲಾಗಿದೆ; (ಜಿಲ್ಲಾವಾರು ವಿವರ ನೀಡುವುದು)

(ಇ) ಪೋಡಿಗಾಗಿ ಸಲ್ಲಿಕೆಯಾದ ಅರ್ಜಿಗಳನ್ನು ಇತ್ಯರ್ಥಪಡಿಸಲು ಕಾಲಮಿತಿ ಇದೆಯೇ ; ಕಾಲಮಿತಿಯೊಳಗೆ ಅರ್ಜಿಗಳನ್ನು ವಿಲೇವಾರಿ ಮಾಡದ ಎಷ್ಟು ಜನ ಅಧಿಕಾರಿಗಳ ವಿರುದ್ಧ ಸಿ.ಸಿ.ಎ. ನಿಯಮಾವಳಿ ಅನ್ವಯ ಕ್ರಮ ಕೈಗೊಳ್ಳಲಾಗಿದೆ ; (ವಿವರ ನೀಡುವುದು)

(ಈ) ಪೋಡಿಗಾಗಿ ಬಾಕಿ ಇರುವ ಅರ್ಜಿಗಳನ್ನು ತ್ವರಿತಗತಿಯಲ್ಲಿ ವಿಲೇವಾರಿ ಮಾಡಲು ಸರ್ಕಾರ ಕೈಗೊಂಡ ಕ್ರಮಗಳೇನು ;

(ಉ) ಈ ವರೆವಿಗೂ ಮಾನ್ಯ ಉಚ್ಛನ್ಯಾಯಾಲಯದಲ್ಲಿ ಪೋಡಿಗಾಗಿ ದಾಖಲಾದ ಪ್ರಕರಣಗಳೆಷ್ಟು ; ಮಾನ್ಯ ಉಚ್ಛನ್ಯಾಯಾಲಯದಲ್ಲಿ ತೀರ್ಮಾನಗೊಂಡು ಪೋಡಿಮಾಡಲು ಆದೇಶವಾಗಿರುವ ಪ್ರಕರಣಗಳು ಎಷ್ಟು ; ಮಾನ್ಯ ಉಚ್ಛನ್ಯಾಯಾಲಯದ ಆದೇಶದ ನಂತರವೂ ಪೋಡಿ ಕಾರ್ಯಗಳು ಆಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಕೈಗೊಂಡ ಕ್ರಮಗಳೇನು ?